ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಅತಿಥಿ ಉಪನ್ಯಾಸಕರುಗಳಿಗೆ ವೇತನ ನೀಡದಿರುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

09 (38) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಸರ್ಕಾರಿ ಪದವಿ ಮತ್ತು ಇಂಜಿನಿಯರಿಂಗ್ ಕಾಲೇಜುಗಳಲ್ಲಿ ಸೇವೆ ಸಲ್ಲಿಸಿರುವ ಅತಿಥಿ ಉಪನ್ಯಾಸಕರುಗಳಿಗೆ ಬಹಳ ಸಮಯದಿಂದ ವೇತನ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಈ ಬಗ್ಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಆ) ವಿದ್ಯುಚ್ಛಕ್ತಿ, ದೂರವಾಣಿ, ವಾಹನ, ಸೆಕ್ಯೂರಿಟಿಗೆ ಸಂಬಂಧಪಟ್ಟ ಅನುದಾನವನ್ನು ಬಹಳ ಸಮಯದಿಂದ ಬಿಡುಗಡೆ ಯಾಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಈ ಬಗ್ಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಸರ್ಕಾರಿ ಪದವಿ ಮತ್ತು ಇಂಜಿನಿಯರಿಂಗ್ ಕಾಲೇಜುಗಳಲ್ಲಿ ಖಾಲಿ ಇರುವ ಬೋಧಕ/ಬೋಧಕೇತರ ಹುದ್ದೆಗಳೆಷ್ಟು; ಅವುಗಳನ್ನು ಯಾವಾಗ ಭರ್ತಿಮಾಡಲಾಗುವುದು? (ವಿವರ ನೀಡುವುದು)